ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 03 ನೇ ಮಾರ್ಚ್, 2020

ನ್ಯಾಯಬೆಲೆ ಅಂಗಡಿಯಲ್ಲಿ ಆಹಾರ ಪದಾರ್ಥ ಸರಬರಾಜು ಮಾಡುವಲ್ಲಿ ಅವ್ಯವಹಾರದ ಬಗ್ಗೆ

ಶ್ರೀ ಎಸ್. ಎಲ್. ಘೋಟ್ನೆಕರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

150 (70) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಾರವಾರ ಜಿಲ್ಲೆಯಲ್ಲಿ ಆಹಾರ ಮತ್ತು ನಾಗರಿಕ ಸರಬರಾಜು ಇಲಾಖೆಯ ಅನ್ನಭಾಗ್ಯ ಯೋಜನೆಯಡಿಯಲ್ಲಿ ಪ್ರತಿ ತಿಂಗಳೂ ಸರಬರಾಜು ಮಾಡಲಾಗುತ್ತಿರುವ ಆಹಾರ ಪದಾರ್ಥಗಳ ಪ್ರಮಾಣವೆಷ್ಟು ; (ಜಿಲ್ಲಾವಾರು/ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)

(ಆ) ಕಾರವಾರ ಜಿಲ್ಲೆಗೆ ಪ್ರತಿ ತಿಂಗಳು ಆಹಾರ ಪದಾರ್ಥ ಸರಬರಾಜು ಮಾಡಲು ಸರ್ಕಾರಕ್ಕೆ ತಗಲುತ್ತಿರುವ ವೆಚ್ಚವೆಷ್ಟು ; (ಜಿಲ್ಲಾವಾರು /ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)

(ಇ) ಇಲಾಖೆಯ ಅಧಿಕಾರಿ ನ್ಯಾಯಬೆಲೆ ಅಂಗಡಿಗಳಿಗೆ ಆಹಾರ ಪದಾರ್ಥ ಸರಬರಾಜು ಮಾಡುವಲ್ಲಿ ತಾರತಮ್ಯ ಹಾಗೂ ಭ್ರಷ್ಟಾಚಾರದಲ್ಲಿ ತೊಡಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ನ್ಯಾಯಬೆಲೆ ಅಂಗಡಿಯವರು ಆಹಾರ ಸಾಮಗ್ರಿಗಳನ್ನು ಬಿ.ಪಿ.ಎಲ್ ಕಾರ್ಡ್‌ದಾರರಿಗೆ ನೀಡುವಾಗ ಬಹಳಷ್ಟು ಅವ್ಯವಹಾರಗಳು ಆಗಿದ್ದು ಇದರ ಕುರಿತು ಸಂಬಂಧಿಸಿದವರ ಮೇಲೆ ಯಾವ ಕ್ರಮ ಕೈಗೊಳ್ಳಲಾಗಿದೆ ;

(ಉ) ಹಾಗಿದ್ದಲ್ಲಿ, ಕಳೆದ 3 ವರ್ಷಗಳಲ್ಲಿ ಯಾವ ಯಾವ ಅಧಿಕಾರಿಗಳ ವಿರುದ್ಧ ಭ್ರಷ್ಟಾಚಾರ ದೂರುಗಳು ದಾಖಲಾಗಿರುತ್ತದೆ ಹಾಗೂ ಇಂತಹ ಅಧಿಕಾರಿಗಳ ವಿರುದ್ಧ ಕೈಗೊಂಡಿರುವ ಕ್ರಮಗಳೇನು; ಯಾವ ಯಾವ ನ್ಯಾಯಬೆಲೆ ಅಂಗಡಿಯವರ ಮೇಲೆ ಕ್ರಮಕೈಗೊಳ್ಳಲಾಗಿದೆ ? (ಜಿಲ್ಲಾವಾರು/ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)